ಲಿಖಿತ ಮೂಲಕ ಉತ್ತರಿಸುವ

# ಕರ್ನಾಟಕ ವಿಧಾನ ಪರಿಷತ್ತು

ನೂರ ಮೂವತ್ತೆಂಟನೆಯ ಅಧಿವೇಶನ

ಶುಕ್ರವಾರ, ದಿನಾಂಕ 19ನೇ ಜುಲೈ, 2019

ಶಿವಮೊಗ್ಗ ಜಿಲ್ಲೆಯ ಸ್ಥಳೀಯ ಸಂಸ್ಥೆಗಳಲ್ಲಿ ಕಾರ್ಯನಿರ್ವಹಿಸುತ್ತಿರುವ ಪೌರಕಾರ್ಮಿಕರ ಬಗ್ಗೆ

ಶ್ರೀ ಆರ್. ಪ್ರಸನ್ನ ಕುಮಾರ್ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

388 (451) ಮಾನ್ಯ ಪೌರಾಡಳಿತ ಮತ್ತು ಸ್ಥಳೀಯ ಸಂಸ್ಥೆಗಳ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಶಿವಮೊಗ್ಗ ಜಿಲ್ಲೆಯ ಸ್ಥಳೀಯ ಸಂಸ್ಥೆಗಳಲ್ಲಿ ಕಾರ್ಯ ನಿರ್ವಹಿಸುತ್ತಿರುವ ಪೌರ ಕಾರ್ಮಿಕರ ಸಂಖ್ಯೆ ಎಷ್ಟು ; (ವಿವರ ನೀಡುವುದು)

(ಆ) ಇದುವರೆಗೆ ಎಷ್ಟು ಪೌರ ಕಾರ್ಮಿಕರನ್ನು ಖಾಯಂಗೊಳಿಸಲಾಗಿದೆ ; ಎಷ್ಟು ಪೌರ ಕಾರ್ಮಿಕರನ್ನು ಖಾಯಂಗೊಳಿಸುವ ಪ್ರಸ್ತಾವನೆ ಸರ್ಕಾರದ ಮುಂದಿದೆ ;

(ಇ) ಪೌರ ಕಾರ್ಮಿಕರಿಗೆ ಪ್ರಸ್ತುತ ನೀಡಲಾಗುತ್ತಿರುವ ವೇತನ ಮತ್ತು ಇತರೆ ಸವಲತ್ತುಗಳೇನು ;

(ಈ) ಎಷ್ಟು ಪೌರ ಕಾರ್ಮಿಕರನ್ನು ವಿದೇಶ ಅಧ್ಯಯನ ಪ್ರವಾಸಕ್ಕೆ ಕಳುಹಿಸಲಾಗಿದೆ ; ಇನ್ನು ಎಷ್ಟು ಮಂದಿಯನ್ನು ಪ್ರವಾಸಕ್ಕೆ ಕಳುಹಿಸುವ ಪ್ರಸ್ತಾವನೆ ಸರ್ಕಾರದ ಮುಂದಿದೆ ; ವಿದೇಶ ಪ್ರವಾಸ ಮಾಡಿರುವ ಪೌರ ಕಾರ್ಮಿಕರ ಗುಣಮಟ್ಟ ಹೆಚ್ಚಿದೆಯೇ ;

(ಉ) ಪೌರ ಕಾರ್ಮಿಕರನ್ನು ಖಾಯಂಗೊಳಿಸುವಂತೆ ಅನೇಕ ವರ್ಷಗಳಿಂದ ಪೌರಾಡಳಿತ ಸಂಸ್ಥೆಗಳಲ್ಲಿ ಕೆಲಸ ನಿರ್ವಹಿಸುತ್ತಿರುವ ಗ್ರೂಪ್-ಡಿ ಮತ್ತಿತರ ನೌಕರರನ್ನು ಖಾಯಂಗೊಳಿಸುವ ಪ್ರಸ್ತಾವನೆ ಸರ್ಕಾರದ ಮುಂದಿದೆಯೇ ; ತಾತ್ಕಾಲಿಕ ನೌಕರರನ್ನು ಖಾಯಂಗೊಳಿಸಿ ಜೀವನ ಭದ್ರತೆ ಒದಗಿಸುವ ಬಗ್ಗೆ ಸರ್ಕಾರದ ನಿಲುವೇನು ; ಈ ಕುರಿತು ಸರ್ಕಾರ ಯಾವ ಕ್ರಮ ಕೈಗೊಳ್ಳಲಿದೆ ?